# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 2330
ಸದಸ್ಯರ ಹೆಸರು : ಶ್ರೀ ಕೆ.ಹರೀಶ್ ಕುಮಾರ್
(ವಿಧಾನ ಸಭೆಯಿಂದ ಚುನಾಯಿತರಾದವರು)
ಉತ್ತರಿಸಬೇಕಾದ ದಿನಾಂಕ : 21.03.2022
ಉತ್ತರಿಸುವ ಸಚಿವರು : ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿರುವ ಸರ್ಕಾರಿ ಪ್ರೌಢ ಶಾಲೆಗಳ ಸಂಖ್ಯೆ ಎಷ್ಟು; ಹಾಗೂ ಈ ಸರ್ಕಾರಿ ಶಾಲೆಗಳಲ್ಲಿ ಮಕ್ಕಳು ಶೌಚಾಲಯದ ಸಮಸ್ಯೆಗಳನ್ನು ಎದುರಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ರಾಜ್ಯದಲ್ಲಿರುವ ಸರ್ಕಾರಿ ಪ್ರೌಢ ಶಾಲೆಗಳ ಸಂಖ್ಯೆ :4738<br><br>ಎಲ್ಲಾ ಸರ್ಕಾರಿ ಪ್ರೌಢ ಶಾಲೆಗಳಲ್ಲಿ ಶೌಚಾಲಯಗಳಿರುತ್ತವೆ. |
| ಆ) | ಮಕ್ಕಳ ಸಂಖ್ಯೆಗೆ ಅನುಗುಣವಾಗಿ ಶೌಚಾಲಯಗಳ ನಿರ್ಮಾಣ ಮತ್ತು ನಿರ್ವಹಣೆಯಲ್ಲಿ ರಾಜ್ಯ ಸರ್ಕಾರವು ಕ್ರಮ ಕೈಗೊಳ್ಳದಿರಲು ಕಾರಣವೇನು? | 2020-21ನೇ ಸಾಲಿನಲ್ಲಿ ರಾಜ್ಯ ವಲಯ ಹಾಗೂ ಮನರೇಗಾ ಅನುದಾನ ಒಗ್ಗೂಡಿಸುವಿಕೆಯ ಮೂಲಕ ಸರ್ಕಾರಿ ಪ್ರಾಥಮಿಕ ಮತ್ತು ಪ್ರೌಢಶಾಲೆಗಳ ಶೌಚಾಲಯ ನಿರ್ಮಾಣ, ಆಟದ ಮೈದಾನ, ಆವರಣ ಗೋಡೆ, ಅಡುಗೆ ಕೋಣೆ, ಮಳೆ ನೀರು ಕೊಯ್ಲು ಯೋಜನೆ, ಪೌಷ್ಟಿಕ ತೋಟ ನಿರ್ಮಾಣ ಯೋಜನೆಗಳನ್ನು ಅನುಷ್ಠಾನಗೊಳಿಸಲು ರೂ. 2920.99 ಲಕ್ಷಗಳ ಅನುದಾನವನ್ನು ಬಿಡುಗಡೆ ಮಾಡಲಾಗಿದೆ.<br><br>2021-22ನೇ ಸಾಲಿನಲ್ಲಿ ರಾಜ್ಯ ವಲಯ ಹಾಗೂ ನರೇಗಾ ಅನುದಾನ ಒಗ್ಗೂಡಿಸುವಿಕೆಯ ಮೂಲಕ ಸರ್ಕಾರಿ ಪ್ರಾಥಮಿಕ ಮತ್ತು ಪ್ರೌಢಶಾಲೆಗಳ ಶೌಚಾಲಯ ನಿರ್ಮಾಣ ಹಾಗೂ ದುರಸ್ತಿಗೆ ರೂ. 3500.00 ಲಕ್ಷಗಳ ಅನುದಾನ ಮಂಜೂರಾಗಿರುತ್ತದೆ ಹಾಗೂ ಬಿಡುಗಡೆ ಮಾಡಲಾಗಿದೆ.<br><br>2021-22ನೇ ಸಾಲಿನಲ್ಲಿ ಅಮೃತ ಶಾಲಾ ಸೌಲಭ್ಯ ಯೋಜನೆ ಅಡಿಯಲ್ಲಿ ಆಯ್ದ 750 ಸರ್ಕಾರಿ ಪ್ರಾಥಮಿಕ ಮತ್ತು ಪ್ರೌಢ ಶಾಲೆಗಳಿಗೆ ಸುಸಜ್ಜಿತ ಕಟ್ಟಡ, ಪ್ರಯೋಗಾಲಯ, ಗ್ರಂಥಾಲಯ, ಶೌಚಾಲಯ ಇತ್ಯಾದಿ ಸಮಗ್ರ ಸೌಲಭ್ಯ ಒದಗಿಸಲು ತಲಾ ರೂ.10.00 ಲಕ್ಷಗಳಂತೆ ಒಟ್ಟು ರೂ.75.00 ಕೋಟಿಗಳನ್ನು ಬಿಡುಗಡೆ ಮಾಡಲಾಗಿದೆ. |

ಇಪಿ: 123 ಯೋಸಕ 2022

(ಬಿ.ಸಿ.ನಾಗೇಶ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು